# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 2128 |
| ಸದಸ್ಯರ ಹೆಸರು | ಶ್ರೀ ಕೆ.ಎ. ತಿಪ್ಪೇಸ್ವಾಮಿ(ನಾಮ ನಿರ್ದೇಶನ ಹೊಂದಿದವರು) |
| ಉತ್ತರಿಸುವ ದಿನಾಂಕ | 18.03.2022 |
| ಉತ್ತರಿಸುವ ಸಚಿವರು | ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು. |

******

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಕೇಂದ್ರ ಸರ್ಕಾರವು ಭಾರತ್ ನೆಟ್ ಯೋಜನೆಯ ಹಂತ-1 ಮತ್ತು ಹಂತ-2ರಡಿಯಲ್ಲಿ ಬ್ರಾಡ್‌ಬ್ಯಾಂಡ್ ಸಂಪರ್ಕಗಳನ್ನು ಕಲ್ಪಿಸಿರುವ ಗ್ರಾಮ ಪಂಚಾಯತಿಗಳಾವುವು;(ಸದರಿ ಯೋಜನೆ ಯಡಿ ಕೇಂದ್ರ ಸರ್ಕಾರದ ಅನುದಾನ ಬಿಡುಗಡೆ ಮತ್ತು ಬಳಕೆಯನ್ನೊಳ ಗೊಂಡಂತೆ ಅದರ ಸಂಪೂರ್ಣ ವಿವರವನ್ನು ನೀಡುವುದು) | ರಾಜ್ಯದ ಎಲ್ಲಾ ಗ್ರಾಮ ಪಂಚಾಯತಿಗಳಿಗೆ ಕೇಂದ್ರ ಸರ್ಕಾರವು ಭಾರತ್ ನೆಟ್ ಯೋಜನೆಯ ಹಂತ-1 ಬ್ರಾಡ್‌ಬ್ಯಾಂಡ್ ಸಂಪರ್ಕವನ್ನು ಒದಗಿಸಲಾಗಿದೆ.<br>ಯೋಜನೆಯ ಅನುಷ್ಠಾನಕ್ಕಾಗಿ ಕೇಂದ್ರ ಸರ್ಕಾರದಿಂದ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಗೆ ಅನುದಾನವನ್ನು ಬಿಡುಗಡೆ ಮಾಡಿರುವುದಿಲ್ಲ. ಯೋಜನೆಯ ಅನುಷ್ಠಾನಕ್ಕಾಗಿ ಕೇಂದ್ರ ಸರ್ಕಾರದಿಂದ ಅನುಷ್ಠಾನ ಇಲಾಖೆಯಾದ ಬಿ.ಎಸ್.ಎನ್.ಎಲ್(BSNL) ಸಂಸ್ಥೆಗೆ ಬಿಡುಗಡೆ ಮಾಡಿ ಅನುಷ್ಠಾನಗೊಳಿಸಿರುತ್ತಾರೆ. |
| ಆ) | ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ ಸ್ಥಾಪಿತವಾಗಿರುವ ಈ ಬ್ರಾಡ್‌ಬ್ಯಾಂಡ್ ವ್ಯವಸ್ಥೆಯು ಎಲ್ಲಾ ಕಡೆಯೂ ಪೂರ್ಣಪ್ರಮಾಣದಲ್ಲಿ ಕಾರ್ಯನಿರ್ವಹಿ ಸಲ್ಪಡುತ್ತಿದೆಯೇ; ಹಾಗಿದ್ದಲ್ಲಿ, ಸದರಿ ಯೋಜನೆಯಡಿ ಬಾಕಿ ಉಳಿದಿರುವ ಗ್ರಾಮ ಪಂಚಾಯತಿಗಳಲ್ಲಿ ಯಾವ ಹಂತದಲ್ಲಿ ಬ್ರಾಡ್‌ಬ್ಯಾಂಡ್ ವ್ಯವಸ್ಥೆಯನ್ನು ಕಲ್ಪಿಸ ಲಾಗುವುದು;(ವಿವರವನ್ನು ನೀಡುವುದು) | ರಾಜ್ಯದ ಎಲ್ಲಾ ಗ್ರಾಮ ಪಂಚಾಯತಿಗಳಿಗೆ ಕೇಂದ್ರ ಸರ್ಕಾರವು ಭಾರತ್ ನೆಟ್ ಯೋಜನೆಯ ಹಂತ-1 ಬ್ರಾಡ್‌ಬ್ಯಾಂಡ್ ಸಂಪರ್ಕವನ್ನು ಒದಗಿಸಿ, ಪೂರ್ಣಪ್ರಮಾಣದಲ್ಲಿ ಕಾರ್ಯನಿರ್ವಹಿಸಲಾಗುತ್ತಿದೆ. |

| | | |
|---|---|---|
| ಇ) | ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿರುವ ಈ ಬ್ರಾಡ್‌ಬ್ಯಾಂಡ್ ವ್ಯವಸ್ಥೆಗಳು ಸದಾ ಕಾಲ ಕಾರ್ಯನಿರ್ವಹಿಸಲು ಅಗತ್ಯವಿರುವ ವಿದ್ಯುತ್ ವ್ಯವಸ್ಥೆಯನ್ನೊಳಗೊಂಡಂತೆ ಎಲ್ಲಾ ಮೂಲ ಸೌಕರ್ಯಗಳನ್ನು ಒದಗಿಸಲಾಗಿದೆಯೇ; (ಪೂರ್ಣ ವಿವರವನ್ನು ನೀಡುವುದು) | ಗ್ರಾಮ ಪಂಚಾಯತಿಗಳಿಗೆ ನಿರಂತರ ವಿದ್ಯುತ್ ಒದಗಿಸುವ ಸಲುವಾಗಿ, ಗ್ರಾಮ ಪಂಚಾಯತಿ ಕಛೇರಿಗಳಿಗೆ Grid Interactive Hybrid Solar Rooftop Power Plants ಗಳನ್ನು ಅಳವಡಿಸುವ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಇಲಾಖೆಯಿಂದ ಯೋಜನೆಯನ್ನು ರೂಪಿಸಿ ಅನುಷ್ಠಾನಗೊಳಿಸಲಾಗುತ್ತಿದೆ. |
| ಈ) | ರಾಜ್ಯದ ಗ್ರಾಮಾಂತರ ಪ್ರದೇಶಗಳಲ್ಲಿರುವ ಶಾಲಾ ಮಕ್ಕಳು ಈ ಬ್ರಾಡ್ ಬ್ಯಾಂಡ್ ವ್ಯವಸ್ಥೆಯನ್ನು ಉಪಯೋಗಿಸಿ ಕೊಳ್ಳಲು ಅನುಕೂಲ ವಾಗುವ ದೃಷ್ಟಿಯಿಂದ ವೈಫೈ(Wifi) ವ್ಯವಸ್ಥೆಯನ್ನು ಗ್ರಾಮ ಪಂಚಾಯತಿ ಆವರಣದಲ್ಲಿ ಒದಗಿಸಲಾಗಿದೆಯೇ? (ವಿವರವನ್ನು ನೀಡುವುದು) | ಇಲ್ಲ |

ಸಂ: ಗ್ರಾಅಪ/32/ಇ-ಆಡಳಿತ/2022

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು.